ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಗ್ರಾಮ ಪಂಚಾಯತ್‌ಗಳ ತುರ್ತು ಕಾಮಗಾರಿ/ನಿರ್ವಹಣೆಗಾಗಿ ವಿಶೇಷ ಅನುದಾನ ನೀಡುವ ಕುರಿತು

ಶ್ರೀ ವಿವೇಕ್‌ರಾವ್ ವಸಂತರಾವ್ ಪಾಟೀಲ್(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1384 (1595) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ಗ್ರಾಮ ಪಂಚಾಯತಿಗಳ ಗ್ರಾಮ ಸಭೆಗಳಲ್ಲಿ ತುರ್ತು ಸಂದರ್ಭಗಳಲ್ಲಿ ಮೂಲಸೌಕರ್ಯದಂತಹ (ರಸ್ತೆ, ಚರಂಡಿ, ಕುಡಿಯುವ ನೀರು ಪೂರೈಕೆಗಾಗಿ ಕೊಳವೆ ಬಾವಿ ಕೊರೆಯುವುದು ಇತ್ಯಾದಿ) ಕಾಮಗಾರಿ ಕೈಗೊಳ್ಳಲು ಅನುದಾನ ಕೊರತೆಯಿಂದಾಗಿ ಗ್ರಾಮ ಸಭೆಯಲ್ಲಿ ಯಾವುದೇ ನಿರ್ಣಯ ಕೈಗೊಳ್ಳಲು ಸಾಧ್ಯವಾಗದೇ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ಕುರಿತು ಸರ್ಕಾರವು ಕೈಗೊಂಡ ಕ್ರಮಗಳೇನು ;

(ಆ) ಪ್ರತಿ ಗ್ರಾಮ ಪಂಚಾಯತಿಗೆ ತುರ್ತು ಸಂದರ್ಭಗಳಲ್ಲಿ ಮೂಲ ಸೌಕರ್ಯದಂತಹ ಕಾಮಗಾರಿಗಳಿಗಾಗಿ ವಿಶೇಷ ಅನುದಾನ ನಿಗಧಿಪಡಿಸಲು ಸರ್ಕಾರವು ಕ್ರಮ ಕೈಗೊಳ್ಳುವುದೇ ?